

# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 988
ಸದಸ್ಯರ ಹೆಸರು : ಶ್ರೀ ಅರುಣ ಶಹಾಪೂರ
ಉತ್ತರಿಸಬೇಕಾದ ದಿನಾಂಕ : 10-03-2021
ಉತ್ತರಿಸುವ ಸಚಿವರು : ಮಾನ್ಯ ಸಮಾಜ ಕಲ್ಯಾಣ ಸಚಿವರು

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘವನ್ನು ಕರ್ನಾಟಕ ವಸತಿ ಶಿಕ್ಷಣ ನಿರ್ದೇಶನಾಲಯ ಮಾಡುವ ಬಗೆಗಿನ ಬೇಡಿಕೆ ಪತ್ರಗಳು, ಶಿಫಾರಸ್ಸು ಪತ್ರಗಳು ಬಂದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ : | ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದಿಂದ ದಿನಾಂಕ:05-03-2021 ರಂದು ನಿರ್ದೇಶನಾಲಯ ಮಾಡುವ ಬಗ್ಗೆ ಪತ್ರ ಸ್ವೀಕೃತವಾಗಿರುತ್ತದೆ.<br><br>ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದ ವಸತಿ ಶಾಲೆಗಳ ವಿದ್ಯಾರ್ಥಿಗಳಿಗೆ ಉಚಿತ ಶಿಕ್ಷಣ, ಆಹಾರ, ಸಮವಸ್ತ್ರ, ಶುಚಿ ಕಿಟ್‌ಗಳು, ಲೇಖನ ಸಾಮಗ್ರಿಗಳು, ಪೀಠೋಪಕರಣಗಳನ್ನು ಒದಗಿಸಲಾಗುತ್ತಿದೆ ಹಾಗೂ ವಿದ್ಯಾರ್ಥಿಗಳ ಸುರಕ್ಷತಾ ಕ್ರಮಗಳನ್ನು ಸಹ ಅನುಸರಿಸಲಾಗುತ್ತಿದೆ.<br><br>2019-20 ನೇ ಸಾಲಿನಲ್ಲಿ ಕೊರೋನಾ ಸೋಂಕಿನ ನಡುವೆಯೂ ರಾಜ್ಯದ ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದ ಎಸ್.ಎಸ್.ಎಲ್.ಸಿ ಫಲಿತಾಂಶವು ಅತ್ಯುತ್ತಮವಾಗಿ ಬಂದಿದೆ. ಸಂಘದ ವ್ಯಾಪ್ತಿಯ 10 ನೇ ತರಗತಿಯ ವಿದ್ಯಾರ್ಥಿಗಳು ವ್ಯಾಸಂಗ ಮಾಡುತ್ತಿರುವ 482 ವಸತಿ ಶಾಲೆಗಳಲ್ಲಿ 20,807 ವಿದ್ಯಾರ್ಥಿಗಳು ಪರೀಕ್ಷೆ ಬರೆದಿದ್ದು, ಒಟ್ಟಾರೆ 19,585 ಉತ್ತೀರ್ಣರಾಗಿದ್ದಾರೆ. ಒಟ್ಟು ಫಲಿತಾಂಶ ಶೇ.94.13 ರಷ್ಟಿದೆ. ಈ ಪೈಕಿ 18,614 (ಶೇ.89.5) ವಿದ್ಯಾರ್ಥಿಗಳು ಡಿಸ್ಟಿಂಗ್ಷನ್ ಮತ್ತು ಪ್ರಥಮ ದರ್ಜೆ ಶ್ರೇಣಿಯಲ್ಲಿ ಉತ್ತೀರ್ಣರಾಗಿದ್ದಾರೆ. ಇದು ರಾಜ್ಯದ ಶಿಕ್ಷಣ ಇಲಾಖೆಯ ಶಾಲೆಗಳ ಒಟ್ಟಾರೆ ಫಲಿತಾಂಶಕ್ಕಿಂತ ಶೇ.22.27 ರಷ್ಟು ಹೆಚ್ಚು ದಾಖಲಾಗಿದೆ. 163 ವಸತಿ ವಸತಿ ಶಾಲೆಗಳು ಶೇ.100 ರಷ್ಟು ಫಲಿತಾಂಶ ದಾಖಲಿಸಿದೆ.<br><br>ರಾಜ್ಯದ ಒಟ್ಟು 34 ಶೈಕ್ಷಣಿಕ ಜಿಲ್ಲೆಗಳ ಪೈಕಿ, 14 ಶೈಕ್ಷಣಿಕ ಜಿಲ್ಲೆಗಳಲ್ಲಿ ಪ್ರಥಮ ಸ್ಥಾನವನ್ನು, 9 ಶೈಕ್ಷಣಿಕ ಜಿಲ್ಲೆಗಳಲ್ಲಿ ದ್ವಿತೀಯ ಸ್ಥಾನವನ್ನು ಹಾಗೂ 16 ಶೈಕ್ಷಣಿಕ ಜಿಲ್ಲೆಗಳಲ್ಲಿ ತೃತೀಯ ಸ್ಥಾನವನ್ನು ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದ ವಸತಿ ಶಾಲೆ ವಿದ್ಯಾರ್ಥಿಗಳು ಹೊಂದಿರುತ್ತಾರೆ. |
| ಆ) | ಬಂದಿದ್ದಲ್ಲಿ, ಈ ಕುರಿತು ಸರ್ಕಾರದ ಸ್ಪಷ್ಟ ನಿಲುವೇನು; ನಿರ್ದೇಶನಾಲಯ ಮಾಡುವ ಪ್ರಕ್ರಿಯೆ ಪ್ರಾರಂಭವಾಗಿದೆಯೇ;<br>ಪ್ರಾರಂಭವಾಗಿದ್ದಲ್ಲಿ ಪ್ರಕ್ರಿಯೆ ಯಾವ ಹಂತದಲ್ಲಿದೆ; ಇಲ್ಲದಿದ್ದಲ್ಲಿ, ಯಾವಾಗ ಪ್ರಕ್ರಿಯೆ ಪ್ರಾರಂಭ ಮಾಡಲಾಗುವುದು; | |
| ಇ) | ನಿರ್ದೇಶನಾಲಯ ಮಾಡಲು ಅಡೆತಡೆಗಳೇನಾದರೂ ಇವೆಯೇ; ಇದ್ದಲ್ಲಿ ಇದರ ಸಮಸ್ಯೆಗೆ ಪರಿಹಾರ ಏನು; | |
| ಈ) | ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘವನ್ನು ಕರ್ನಾಟಕ ವಸತಿ ಶಿಕ್ಷಣ ನಿರ್ದೇಶನಾಲಯ ಮಾಡಿ ಎಲ್ಲಾ ವಸತಿ ಶಾಲೆಗಳನ್ನು ನಿರ್ದೇಶನಾಲಯದಡಿ ತಂದು ಅಭಿವೃದ್ಧಿಪಡಿಸಿದ್ದಲ್ಲಿ ವಿದ್ಯಾರ್ಥಿಗಳಿಗೆ ಹಾಗೂ ನೌಕರರಿಗೆ ಅನುಕೂಲವಾಗಲಿದೆ ಎಂಬುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಈ ನಿಟ್ಟಿನಲ್ಲಿ ತೆಗೆದುಕೊಂಡ ಕ್ರಮಗಳೇನು? | |

| | | |
|---|---|---|
| | | 2019-20 ನೇ ಸಾಲಿನಲ್ಲಿ ದ್ವಿತೀಯ ಪಿ.ಯು.ಸಿ ಪರೀಕ್ಷೆಗೆ 2963 ವಿದ್ಯಾರ್ಥಿಗಳು ಪರೀಕ್ಷೆ ಬರೆದಿದ್ದು, 2554 ವಿದ್ಯಾರ್ಥಿಗಳು ಉತ್ತೀರ್ಣರಾಗಿದ್ದಾರೆ. ಒಟ್ಟು ಫಲಿತಾಂಶ ಶೇ.86.40 ಆಗಿದೆ. ರಾಜ್ಯದ ಶೇಕಡ ಫಲಿತಾಂಶ 69.20 ರಷ್ಟಿದ್ದು, ಶೇ.17 ರಷ್ಟು ಹೆಚ್ಚಿನ ಫಲಿತಾಂಶವನ್ನು ವಸತಿ ಕಾಲೇಜುಗಳು ಹೊಂದಿದೆ.<br><br>ವಸತಿ ಶಾಲಾ/ಕಾಲೇಜುಗಳ ನಿರ್ವಹಣೆ ಮತ್ತು ಶೈಕ್ಷಣಿಕ ಗುಣಮಟ್ಟ ಹೆಚ್ಚಿಸಲು ಅಗತ್ಯವಾದ ಎಲ್ಲಾ ಕ್ರಮಗಳನ್ನು ಸಂಘದಿಂದ ತೆಗೆದುಕೊಳ್ಳಲಾಗುತ್ತಿದೆ. ಈ ನಿಟ್ಟಿನಲ್ಲಿ ಆಡಳಿತ ಮಂಡಳಿ ಮತ್ತು ಸರ್ಕಾರ ಕಾಲ-ಕಾಲಕ್ಕೆ ಶಿಕ್ಷಣ ಗುಣಮಟ್ಟವನ್ನು ಹೆಚ್ಚಿಸುವ ಕುರಿತು ಸೂಕ್ತ ನಿರ್ದೇಶನಗಳನ್ನು ನೀಡಿ ವಸತಿ ಶಾಲೆಗಳನ್ನು ಸುಸೂತ್ರವಾಗಿ ನಡೆಸಲು ಕ್ರಮ ಜರುಗಿಸಲಾಗುತ್ತಿದೆ. ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದ ವಸತಿ ಶಾಲೆಗಳಲ್ಲಿ ಗುಣಾತ್ಮಕ ಶಿಕ್ಷಣ ಕಲ್ಪಿಸುವುದರೊಂದಿಗೆ, ಸದರಿ ಸಂಘದ ಬೋಧಕರು ಮತ್ತು ಬೋಧಕೇತರ ಸಿಬ್ಬಂದಿಗಳಿಗೆ ಹೆಚ್ಚಿನ ಮಟ್ಟಿಗೆ ವೇತನ, ಇಂಕ್ರಿಮೆಂಟ್, ರಜೆ, ಅನುಕಂಪದ ನೇಮಕಾತಿ, ವೈದ್ಯಕೀಯ ವೆಚ್ಚ ಮರುಪಾವತಿ ಇತ್ಯಾದಿಗಳನ್ನು ಸರ್ಕಾರಿ ನೌಕರರಿಗೆ ನೀಡಲಾಗುತ್ತಿರುವ ಸೌಲಭ್ಯಗಳನ್ನು ಒದಗಿಸಲಾಗುತ್ತಿದೆ.<br><br>ಮೇಲ್ಕಂಡಂತೆ ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದಿಂದ ವಸತಿ ಶಾಲೆಗಳನ್ನು ಪರಿಣಾಮಕಾರಿಯಾಗಿ ನಿರ್ವಹಿಸಿ ಪರಿಶಿಷ್ಟ ಜಾತಿ, ಪರಿಶಿಷ್ಟ ಪಂಗಡ ಮತ್ತು ಹಿಂದುಳಿದ ವರ್ಗಗಳ ವಿದ್ಯಾರ್ಥಿಗಳಿಗೆ ಉತ್ತಮವಾದ ಶಿಕ್ಷಣ ಒದಗಿಸಲು ಸಾಧ್ಯವಾಗುತ್ತಿದೆ. ಆದ್ದರಿಂದ, ಈ ಸಂಘವನ್ನು ಕರ್ನಾಟಕ ವಸತಿ ಶಿಕ್ಷಣ ನಿರ್ದೇಶನಾಲಯವನ್ನಾಗಿ ಮಾರ್ಪಡಿಸುವ ಅವಶ್ಯಕತೆ ಕಂಡುಬರುವುದಿಲ್ಲ. |

ಸಂಖ್ಯೆ: ಸಕಇ 98 ಮೊದೇಶಾ 2021

(ಬಿ. ಶ್ರೀರಾಮುಲು)
ಸಮಾಜ ಕಲ್ಯಾಣ ಸಚಿವರು.